


# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ರಹಿತ ಪ್ರಶ್ನೆ

ದಿನಾಂಕ : 25-03-2021 ಪ್ರಶ್ನೆ ಸಂಖ್ಯೆ : 1888 (2137)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎಸ್.ನಾಗರಾಜ್ (ಸಂದೇಶ್ ನಾಗರಾಜ್) (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 25-03-2021

ಉತ್ತರಿಸುವ ಸಚಿವರು: ಮಾನ್ಯ ಮುಖ್ಯಮಂತ್ರಿಗಳು

ವಿಷಯ : ಬೃಹತ್ ಬೆಂಗಳೂರು ಮಹಾನಗರ ಪಾಲಿಕೆಗೆ ಸೇರದ 110 ಹಳ್ಳಿಗಳಿಗೆ ಕಾವೇರಿ ನೀರು ಮತ್ತು ಒಳಚರಂಡಿ ವ್ಯವಸ್ಥೆ ಮಾಡುವ ಬಗ್ಗೆ

(ಅ) ಬೃಹತ್ ಬೆಂಗಳೂರು ಮಹಾನಗರ ಪಾಲಿಕೆಗೆ ಹೊಸದಾಗಿ ಸೇರದ 110 ಹಳ್ಳಿಗಳಿಗೆ ಹಾಗೂ ಅದರ ಸುತ್ತಮುತ್ತಲ ಬಡಾವಣೆಗಳಲ್ಲಿ ಕಾವೇರಿ ಕುಡಿಯುವ ನೀರು ಸರಬರಾಜು ಮತ್ತು ಒಳಚರಂಡಿ ಯೋಜನೆಗಳಿಗೆ ಸಮಗ್ರ ಮಾಸ್ಟರ್ ಪ್ಲಾನ್ ತಯಾರಿಸಲಾಗಿದೆಯೇ; ಈ ಯೋಜನೆಯ ಅನುಷ್ಠಾನಕ್ಕೆ ಅಗತ್ಯವಾದ ಮೊತ್ತವನ್ನು ಸರಿದೂಗಿಸಿಕೊಳ್ಳುವ ಬಗೆ ಹೇಗೆ ;

(ಆ) ಪ್ರಸ್ತುತ ಬಿ.ಬಿ.ಎಂ.ಪಿ.,ಗೆ ಹೊಸದಾಗಿ ಸೇರಿದ ಯಾವ ಯಾವ ಹಳ್ಳಿಗಳಿಗೆ ಹಾಗೂ ಆ ಹಳ್ಳಿಗಳ ಸುತ್ತಮುತ್ತ ಇರುವ ಯಾವ ಯಾವ ಬಡಾವಣೆಗಳಿಗೆ ಕಾವೇರಿ ಕುಡಿಯುವ ನೀರು ಸರಬರಾಜು ಮತ್ತು ಒಳಚರಂಡಿ ವ್ಯವಸ್ಥೆಯನ್ನು ಕಲ್ಪಿಸಲಾಗಿದೆ ; ಈ ಯೋಜನೆಗೆ ಒದಗಿಸಿರುವ ಅನುದಾನ ಎಷ್ಟು; ಹಾಗೂ ಯಾವ ಏಜೆನ್ಸಿ(ಸಂಸ್ಥೆ) ಮುಖಾಂತರ ಈ ಯೋಜನೆಯನ್ನು ಅನುಷ್ಠಾನಗೊಳಿಸಲಾಗುತ್ತಿದೆ; (ಪೂರ್ಣ ವಿವರಗಳನ್ನು ಒದಗಿಸುವುದು)

(ಇ) ಈ ಹಳ್ಳಿಗಳಿಗೆ ಚಾಲ್ತಿಯಲ್ಲಿರುವ ಒಳಚರಂಡಿ ಮತ್ತು ನೀರು ಸರಬರಾಜು ಕಾಮಗಾರಿಗಳನ್ನು ಯಾವ ಕಾಲಮಿತಿಯಲ್ಲಿ ಪೂರ್ಣಗೊಳಿಸಲಾಗುತ್ತದೆ ; ಉಳಿದ ಹಳ್ಳಿಗಳಲ್ಲಿ ಯಾವಾಗ ಈ ಯೋಜನೆಯನ್ನು ಅನುಷ್ಠಾನಗೊಳಿಸಲಾಗುವುದು ?